## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 2186

ಸದಸ್ಯರ ಹೆಸರು : ಶ್ರೀ. ಕೆ. ಪ್ರತಾಪಚಂದ್ರ ಶೆಟ್ಟಿ

ಉತ್ತರಿಸಬೇಕಾದ ದಿನಾಂಕ : 25.03.2021.

ಉತ್ತರಿಸುವ ಸಚಿವರು : ಗೃಹ ಮತ್ತು ಕಾನೂನು ಸಂಸದೀಯ ವ್ಯವಹಾರಗಳು ಹಾಗೂ ಶಸನ ರಚನೆ ಸಚಿವರು.

| ಕ್ರ.ಸ | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯ ಗುಪ್ತಚರ ಇಲಾಖೆಯ ವ್ಯಾಪ್ತಿಗೆ ಒಳಪಡುವ ಚಟುವಟಿಕೆಗಳು ಯಾವುವು? ಒಳಪಡದೇ ಇರುವ ಚಟುವಟಿಕೆಗಳು ಯಾವುವು? | ರಾಜ್ಯ ಗುಪ್ತಚರ ಇಲಾಖೆ ಸಮಾಜಕ್ಕೆ ಮಾರಕವಾದಂತಃ ಅಕ್ರಮ ಚಟುವಟಿಕೆಗಳ ಬಗ್ಗೆ ನಿಗಾವಹಿಸಲು ಹಾಗೂ ಗಣ್ಯ ವ್ಯಕ್ತಿಗಳ ಭದ್ರತೆ ಬಗ್ಗೆ ಸೂಕ್ತ ಕ್ರಮವಹಿಸುತ್ತಿದೆ. |
| ಆ | ಪೊಲೀಸ್ ಇಲಾಖೆ, ಗಣಿ ಇಲಾಖೆ, ಅಬಕಾರಿ, ವಾಣಿಜ್ಯ ತೆರಿಗೆ ಇಲಾಖೆಗಳಲ್ಲಿ ಕೋಟ್ಯಾಂತರ ರೂಪಾಯಿ ತೆರಿಗೆ ವಂಚನೆ ಸೇರಿದಂತೆ ಅಕ್ರಮ ಚಟುವಟಿಕೆಗಳು ನಡೆಯುತ್ತಿದ್ದರೂ ಗುಪ್ತಚರ ಇಲಾಖೆಗೆ ಮಾಹಿತಿ ದೊರಕದಿರಲು ಕಾರಣವೇನು? ಅದನ್ನು ಸರಿಪಡಿಸಲು ಸರ್ಕಾರ ಕೈಗೊಂಡ ಕ್ರಮವೇನು ? | ರಾಜ್ಯ ಗುಪ್ತಚರ ಇಲಾಖೆಯಿಂದ ಸಮಾಜದಲ್ಲಿ ನಡೆಯುತ್ತಿರುವ ಅಕ್ರಮ ಚಟುವಟಿಕೆಗಳಿಗೆ ತೀವ್ರ ನಿಗಾವಹಿಸಿ ಸಂಬಂಧಪಟ್ಟ ಸಂಸ್ಥೆಗಳು/ಪ್ರಾಧಿಕಾರಗಳಿಗೆ ನಿರಂತರವಾಗಿ ಸೂಕ್ತ ತಿಳುವಳಿಕೆಯನ್ನು ನೀಡಲಾಗುತ್ತಿದೆ. |
| ಇ | ಹಲವು ಬಾರಿ ಕಾನೂನು ಬಾಹಿರ ಚಟುವಟಿಕೆಗಳು ಗುಪ್ತಚರ ಇಲಾಖೆಗೆ ಮಾಹಿತಿ ಸಿಗುವ ಪೂರ್ವದಲ್ಲೇ ಮಾಧ್ಯಮಗಳಲ್ಲಿ ಪ್ರಕಟವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ? ಗುಪ್ತಚರ ಇಲಾಖೆಯನ್ನು ಬಲಪಡಿಸುವಲ್ಲಿ ಸರ್ಕಾರ ಕೈಗೊಳ್ಳುವ ಕ್ರಮಗಳಾವುವು? | ರಾಜ್ಯ ಗುಪ್ತಚರ ಇಲಾಖೆಗೆ ಸಿಬ್ಬಂದಿ, ಸಾಧನ ಸಲಕರಣೆಗಳು, ಯಂತ್ರೋಪಕರಣ, ವಾಹನಗಳ ಜೊತೆಗೆ ಆಧುನಿಕ ತಂತ್ರಜ್ಞಾನಗಳೊಂದಿಗೆ ಅಗತ್ಯವಿರುವ ಮೂಲಭೂತ ಸೌಕರ್ಯಗಳನ್ನು ಒದಗಿಸಲಾಗುತ್ತಿದೆ ಹಾಗೂ ಕಾರ್ಯವೈಖರಿ ಚುರುಕುಗೊಳಿಸಲು ಆಗಿಂದಾಗ್ಗೆ ಹಿರಿಯ ಅಧಿಕಾರಿಗಳಿಗೆ ನಿರ್ದೇಶನ ನೀಡಲಾಗುತ್ತಿದೆ. |

**ಹೆಚ್ ಡಿ 221 ಎಸ್‌ಎಸ್‌ಟಿ 2021**

(ಬಸವರಾಜ ಬೊಮ್ಮಾಯಿ)
ಗೃಹ ಮತ್ತು ಕಾನೂನು, ಸಂಸದೀಯ
ವ್ಯವಹಾರಗಳು ಹಾಗೂ ಶಾಸನ ರಚನೆ ಸಚಿವರು